# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 209
ಸದಸ್ಯರ ಹೆಸರು : ಶ್ರೀ ಪ್ರಕಾಶ್ ಕೆ. ರಾಥೋಡ್ (ನಾಮನಿರ್ದೇಶನ ಹೊಂದಿದವರು)
ಉತ್ತರಿಸುವ ದಿನಾಂಕ : 17.02.2022
ಉತ್ತರಿಸುವ ಸಚಿವರು : ಜಲಸಂಪನ್ಮೂಲ ಸಚಿವರು

| ಕ್ರ ಸಂ | ಪ್ರಶ್ನೆಗಳು | ಉತ್ತರಗಳು |
|---|---|---|
| ಅ) | ಆಲಮಟ್ಟಿ ಜಲಾಶಯದ ಉದ್ಯಾನವನಗಳಲ್ಲಿ ಕಾರ್ಯ ನಿರ್ವಹಿಸುತ್ತಿರುವ ಕೂಲಿ ಕಾರ್ಮಿಕರ ಸಂಖ್ಯೆ ಎಷ್ಟು; | ಕೃಷ್ಣಾ ಭಾಗ್ಯ ಜಲ ನಿಗಮ ನಿಯಮಿತದ ಆಲಮಟ್ಟಿ ಜಲಾಶಯದ ವ್ಯಾಪ್ತಿಯಲ್ಲಿ ಅಭಿವೃದ್ಧಿಪಡಿಸಲಾಗಿರುವ ಉದ್ಯಾನವನಗಳನ್ನು ಅವಶ್ಯಕತೆ ಅನುಗುಣವಾಗಿ ಕೂಲಿ ಕಾರ್ಮಿಕರನ್ನು ನಿಯೋಜಿಸಿ ಉದ್ಯಾನವನ ನಿರ್ವಹಣೆಯನ್ನು ಮಾಡಲಾಗುತ್ತಿದ್ದು, ಪ್ರಸ್ತುತ ಸುಮಾರು 250 ಕೂಲಿ ಕಾರ್ಮಿಕರು ಕೆಲಸ ನಿರ್ವಹಿಸುತ್ತಿದ್ದಾರೆ. |
| ಆ) | ಈ ಕೂಲಿ ಕಾರ್ಮಿಕರು ಆಲಮಟ್ಟಿ ಅಣೆಕಟ್ಟಿನಿಂದ ನಿರಾಶ್ರಿತರಾಗಿದ್ದು, ಕಳೆದ 20 ವರ್ಷಗಳಿಂದ ಉದ್ಯಾನವನ ನಿರ್ವಹಣೆಯ ಕೆಲಸ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಉದ್ಯಾನವನಗಳನ್ನು ಅವಶ್ಯಕತೆ ಅನುಗುಣವಾಗಿ ವಾರ್ಷಿಕ ಕಾರ್ಯಕ್ರಮ ಪಟ್ಟಿಯಲ್ಲಿ ಪ್ರಾವಿಧಾನ ಮಾಡಿ ಅನುದಾನ ಲಭ್ಯತೆ ಆಧಾರದ ಮೇಲೆ ಉದ್ಯಾನವನ ನಿರ್ವಹಣೆಯನ್ನು ಮಾಡಲಾಗುತ್ತಿದೆ.<br><br>ಆಲಮಟ್ಟಿ ಆಣೆಕಟ್ಟಿನ ವ್ಯಾಪ್ತಿಯಲ್ಲಿಯ ಉದ್ಯಾನವನಗಳ ನಿರ್ವಹಣೆಗಾಗಿ ಪ್ರಸ್ತುತ ಚಾಲ್ತಿಯಲ್ಲಿರುವ ನಿಯಮಾವಳಿಗಳನ್ವಯ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದನ್ವಯ (KTPP) ಉದ್ಯಾನವನಗಳ ನಿರ್ವಹಣೆ ಕಾಮಗಾರಿಗಳನ್ನು ಟೆಂಡರ್ ಮೂಲಕವೇ ಕೈಗೆತ್ತಿಕೊಳ್ಳಬೇಕಾಗಿರುತ್ತದೆ. ಪ್ರಸ್ತುತ ಸದರಿ ಉದ್ಯಾನವನಗಳ ನಿರ್ವಹಣಾ ಕಾಮಗಾರಿಗಳನ್ನು ಟೆಂಡರ್ ಮೂಲಕ ನಿರ್ವಹಿಸಲು ಕೃಷ್ಣಾ ಭಾಗ್ಯ ಜಲ ನಿಗಮದಡಿ ಕ್ರಮ ಜರುಗಿಸಲಾಗುತ್ತಿದೆ. |
| ಇ) | ಉದ್ಯಾನವನ ನಿರ್ವಹಣೆಯನ್ನು ಖಾಸಗಿ ಒಡೆತನದ ಕಂಪನಿಗಳಿಗೆ ನೀಡಲು ಟೆಂಡರ್ ಪ್ರಕ್ರಿಯೆ ನಡೆಯುತ್ತಿದೆಯೇ; ಇದರಿಂದ 20 ವರ್ಷಗಳಿಂದ ಕಾರ್ಯ ನಿರ್ವಹಿಸುತ್ತಿರುವ ಕೂಲಿ ಕಾರ್ಮಿಕರಿಗೆ ಅನ್ಯಾಯವಾಗುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇದನ್ನು ಸರಿಪಡಿಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು? | |

ಸಂಖ್ಯೆ:ಜಸಂಇ 15 ಡಬ್ಲ್ಯೂಬಿಎಂ 2022

(ಗೋವಿಂದ ಎಂ.ಕಾರಜೋಳ)
ಜಲ ಸಂಪನ್ಮೂಲ ಸಚಿವರು